# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| 1) | ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1891 |
| 2) | ಮಾನ್ಯ ಸದಸ್ಯರ ಹೆಸರು | ಶ್ರೀ ಎನ್.ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| 3) | ಉತ್ತರಿಸಬೇಕಾದ ದಿನಾಂಕ | 22/03/2021 |
| 4) | ಉತ್ತರಿಸುವವರು | ಉಪ ಮುಖ್ಯಮಂತ್ರಿಗಳು ಹಾಗೂ ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಇಲಾಖೆ ಸಚಿವರು |

************

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಉದ್ಯೋಗ ವಿನಿಮಯ ಕೇಂದ್ರಗಳ ಕಾರ್ಯಗಳು ಯುವಶಕ್ತಿಯನ್ನೇ ಮುಖ್ಯವಾಗಿ ಒಳಗೊಂಡಿರುವುದರಿಂದ, ಇದರ ಬಗ್ಗೆ ಸಾರ್ವಜನಿಕ ವಲಯದಲ್ಲಿರುವ ನಂಬಿಕೆ ಹಾಗೂ ವಿಶ್ವಾಸವನ್ನು ಹೆಚ್ಚಿಸುವ ನಿಟ್ಟಿನಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು: (ವಿವರ ನೀಡುವುದು) | ಉದ್ಯೋಗ ವಿನಿಮಯ ಕಚೇರಿಗಳು ಉದ್ಯೋಗಾಕಾಂಕ್ಷಿಗಳಲ್ಲಿ ನಂಬಿಕೆ ಹಾಗೂ ವಿಶ್ವಾಸವನ್ನು ಹೆಚ್ಚಿಸುವ ನಿಟ್ಟಿನಲ್ಲಿ ಈ ಕೆಳಕಂಡ ಕ್ರಮಗಳನ್ನು ಕೈಗೊಳ್ಳಲಾಗಿದೆ.<br>1. **ನೋಂದಣಿ ಮತ್ತು ವೃತ್ತಿ ಮಾರ್ಗದರ್ಶನ** – ಉದ್ಯೋಗಾಕಾಂಕ್ಷಿಗಳನ್ನು ಉದ್ಯೋಗ ವಿನಿಮಯ ಕೇಂದ್ರಗಳ ಮೂಲಕ ನೋಂದಾಯಿಸಿಕೊಳ್ಳಲಾಗುತ್ತಿದ್ದು, ಅವರಿಗೆ ಕೌನ್ಸಲಿಂಗ್ ಸೌಲಭ್ಯ ಒದಗಿಸಲಾಗಿದ್ದು, ಅಗತ್ಯಕ್ಕೆ ತಕ್ಕಂತೆ ಲಭ್ಯವಿರುವ ಶಿಕ್ಷಣ/ತರಬೇತಿ ಸೌಲಭ್ಯ ಹಾಗೂ ಉದ್ಯೋಗಾವಕಾಶಗಳ ಬಗ್ಗೆ ವೃತ್ತಿ ಮಾರ್ಗದರ್ಶನ ನೀಡಲಾಗುತ್ತಿದೆ.<br>2. **ಸ್ಟಡಿ ಸರ್ಕಲ್:** ಸಾರ್ವಜನಿಕ ವಲಯದಲ್ಲಿ ಹೆಚ್ಚಿನ ನೇಮಕಾತಿಗಳು ಸ್ಪರ್ಧಾತ್ಮಕ ಪರೀಕ್ಷೆಗಳ ಮೂಲಕ ನಡೆಯುತ್ತಿರುವುದರಿಂದ ಆದರಲೂ ಗ್ರಾಮೀಣ ಅಭ್ಯರ್ಥಿಗಳನ್ನು ದೃಷ್ಟಿಯಲ್ಲಿಟ್ಟುಕೊಂಡು ಉಚಿತ ಪರೀಕ್ಷಪೂರ್ವ ತರಬೇತಿಗಳನ್ನು ಜಿಲ್ಲಾ ಉದ್ಯೋಗ ವಿನಿಮಯ ಕಚೇರಿಗಳಲ್ಲಿ ಸ್ಟಡಿ ಸರ್ಕಲ್ ಕಾರ್ಯಕ್ರಮದ ಅಡಿ ಸಂಪನ್ಮೂಲ ವ್ಯಕ್ತಿಗಳ ಮೂಲಕ ತರಬೇತಿ ಒದಗಿಸಲಾಗುತ್ತಿದೆ.<br>3. **ಉದ್ಯೋಗ ಮೇಳ:** ಉದ್ಯೋಗಾಕಾಂಕ್ಷಿಗಳ ಮತ್ತು ನಿಯೋಜಕರನ್ನು ಒಂದೇ ವೇದಿಕೆಯಲ್ಲಿ ತರಲು ಉದ್ಯೋಗ ಮೇಳಗಳನ್ನು ಪ್ರತಿ ಜಿಲ್ಲಾ ಉದ್ಯೋಗ ವಿನಿಮಯ ಕಚೇರಿಗಳ ಮೂಲಕ ಆಯೋಜಿಸಲಾಗುತ್ತಿದ್ದು, ಇದರಿಂದ ಉದ್ಯೋಗಾವಕಾಶಗಳ ಲಭ್ಯತೆ ಮತ್ತು ಅಗತ್ಯ ಮಾನವ ಸಂಪನ್ಮೂಲಗಳ ನೇಮಕಕ್ಕೆ ಅವಕಾಶ ಕಲ್ಪಿಸಲಾಗುತ್ತಿದೆ. |
| ಆ) | ರಾಜ್ಯದಲ್ಲಿ ತಾಂತ್ರಿಕ ಶಿಕ್ಷಣ ನೀಡುವ ಸಂಸ್ಥೆಗಳನ್ನು ಒಂದೆಡೆ ತರುವ ನಿಟ್ಟಿನಲ್ಲಿ ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು) | ಇಂತಹ ಯಾವುದೇ ಪ್ರಸ್ತಾವನೆ ಇಲಾಖೆಯ ಮುಂದಿರುವುದಿಲ್ಲ. |
| ಇ) | ಇಲಾಖೆಯ ತರಬೇತಿ ವಿಭಾಗದ ಕಾಯಚಟುವಟಿಕೆಗಳು ಸಂಪೂರ್ಣವಾಗಿ ತಾಂತ್ರಿಕ ಶಿಕ್ಷಣ ನೀಡುವುದೇ ಆಗಿರುವುದರಿಂದ, ಈ ವಿಭಾಗವನ್ನು ತಾಂತ್ರಿಕ ಶಿಕ್ಷಣ ಇಲಾಖೆಯೊಂದಿಗೆ ವಿಲೀನಗೊಳಿಸುವುದು ಸೂಕ್ತವಾಗಿದ್ದು, ಈ ನಿಟ್ಟಿನಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು; | ಇಂತಹ ಯಾವುದೇ ಪ್ರಸ್ತಾವನೆ ಸರ್ಕಾರದ ಮುಂದಿರುವುದಿಲ್ಲ. |

| | | |
|---|---|---|
| ಈ) | ಕೌಶಲ್ಯ ಮಿಷನ್‌ನ ಮುಖ್ಯ ಉದ್ದೇಶ ನಿರುದ್ಯೋಗ ಯುವಕ, ಯುವತಿಯವರಿಗೆ ಕೌಶಲ್ಯ ತರಬೇತಿಗಳನ್ನು ನೀಡುವುದರ ಮುಖಾಂತರ ಉದ್ಯೋಗಾರ್ಹತೆಯನ್ನು ಹೆಚ್ಚಿಸಿ, ಉದ್ಯೋಗ ಕಲ್ಪಿಸಿಕೊಡುವುದಾಗಿದ್ದು, ಸದರಿ ಮಿಷನ್‌ನ ಚಟುವಟಿಕೆಗಳನ್ನು ಉದ್ಯೋಗ ವಿನಿಮಯ ಕೇಂದ್ರದ ಚಟುವಟಿಕೆಗಳೊಂದಿಗೆ ವಿಲೀನಗೊಳಿಸುವುದು ಸೂಕ್ತವಾಗಿರುವುದರಿಂದ ಈ ನಿಟ್ಟಿನಲ್ಲಿ ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ವಿವರ ನೀಡುವುದು) | ಪ್ರಸ್ತುತ ಕೌಶಲ್ಯ ಮಿಷನ್‌ನ್ನು ಕರ್ನಾಟಕ ವೃತ್ತಿ ತರಬೇತಿ ಮತ್ತು ಕೌಶಲ್ಯಾಭಿವೃದ್ಧಿ ನಿಗಮ ನಿಯಮಿತದೊಂದಿಗೆ ವಿಲೀನಗೊಳಿಸಿ, ಕರ್ನಾಟಕ ಕೌಶಲ್ಯಾಭಿವೃದ್ಧಿ ನಿಗಮವೆಂದು ಮರು ನಾಮಕರಣ ಮಾಡಿ ಕಾರ್ಯನಿರ್ವಹಿಸಲಾಗುತ್ತಿದೆ. ಕೌಶಲ್ಯಾಭಿವೃದ್ಧಿ ನಿಗಮದಿಂದ ಅಲ್ಪಾವಧಿ ತರಬೇತಿ ಕಾರ್ಯಕ್ರಮಗಳನ್ನು ನಡೆಸಿ ಉದ್ಯೋಗ ಕಲ್ಪಿಸುವ ಗುರಿ ಹೊಂದಿ ಕಾರ್ಯನಿರ್ವಹಿಸುತ್ತಿದೆ. ಕೌಶಲ್ಯ ಮಿಷನ್‌ನ್ನು ಉದ್ಯೋಗ ವಿನಿಮಯ ಕೇಂದ್ರದೊಂದಿಗೆ ವಿಲೀನಗೊಳಿಸುವ ಪ್ರಸ್ತಾವನೆ ಸರ್ಕಾರದ ಮುಂದೆ ಇರುವುದಿಲ್ಲ. |

ಸಂಖ್ಯೆ: ಕೌಉಜೀಇ 27 ಕೈತಪ್ರ 2021

(ಡಾ.ಸಿ.ಎನ್.ಅಶ್ವಥ ನಾರಾಯಣ)
ಉಪ ಮುಖ್ಯಮಂತ್ರಿಗಳು ಹಾಗೂ
ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು
ಜೀವನೋಪಾಯ ಸಚಿವರು